**ಕರ್ನಾಟಕ ವಿಧಾನ ಪರಿಷತ್ತು**

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1976(2245)
ಸದಸ್ಯರ ಹೆಸರು : ಶ್ರೀ ಕೆ.ಟಿ. ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ)
ಉತ್ತರಿಸುವ ದಿನಾಂಕ : 21-03-2022
ಉತ್ತರಿಸುವ ಸಚಿವರು : ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು

| ಕ್ರಮ ಸಂಖ್ಯೆ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದ ಸರ್ಕಾರಿ ಪದವಿ ಪೂರ್ವ ಕಾಲೇಜುಗಳ ಉಪನ್ಯಾಸಕ ವರ್ಗಾವಣೆ 2020-21ನೇ ಸಾಲಿನಲ್ಲಿ ನಡೆಸಲಾಗಿದೆಯೇ; | ಸರ್ಕಾರಿ ಪದವಿ ಪೂರ್ವ ಕಾಲೇಜುಗಳ ಉಪನ್ಯಾಸಕರ ವರ್ಗಾವಣೆಯನ್ನು 2020-21ನೇ ಸಾಲಿನಲ್ಲಿ ನಡೆಸಿರುವುದಿಲ್ಲ. |
| ಆ) | ಇಲ್ಲವಾದಲ್ಲಿ, ನಡೆಸದಿರಲು ಕಾರಣವೇನು; (ವಿವರ ನೀಡುವುದು) | ಸರ್ಕಾರಿ ಪದವಿ ಪೂರ್ವ ಕಾಲೇಜು ಉಪನ್ಯಾಸಕರ ಹಾಗೂ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಶಿಕ್ಷಕರ ವರ್ಗಾವಣೆ ನಿಯಂತ್ರಣ ಅಧಿನಿಯಮವನ್ನು "ಶಿಕ್ಷಕ ಸ್ನೇಹಿ" ವರ್ಗಾವಣೆಗಳನ್ನೊಳಗೊಂಡ ನೂತನ ಕಾಯ್ದೆಯನ್ನು ರಚಿಸಲು ತೀರ್ಮಾನಿಸಲಾಗಿದೆ. ಅದರಂತೆ, ಕರ್ನಾಟಕ ರಾಜ್ಯ ಸಿವಿಲ್ ಸೇವೆ (ಶಿಕ್ಷಕರ ವರ್ಗಾವಣೆ ನಿಯಂತ್ರಣ) ವಿಧೇಯಕ 2020ನ್ನು ದಿನಾಂಕ:10-03-2020ರಂದು ಕರ್ನಾಟಕ ರಾಜ್ಯ ಪತ್ರದಲ್ಲಿ ಪ್ರಕಟಿಸಲಾಗಿರುತ್ತದೆ. ಸದರಿ ಅಧಿನಿಯಮದಲ್ಲಿ, ಸರ್ಕಾರಿ ಪದವಿ ಪೂರ್ವ ಕಾಲೇಜಿನ ಉಪನ್ಯಾಸಕರು ಹಾಗೂ ಪ್ರಾಂಶುಪಾಲರಿಗೆ ಸಂಬಂಧಿಸಿದ ಉಪಬಂಧಗಳನ್ನು ಹೊರತುಪಡಿಸಿ, ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳು(ಶಿಕ್ಷಕರ ವರ್ಗಾವಣೆ ನಿಯಂತ್ರಣ) ಕಾಯ್ದೆ, 2007 ನಿರಸನಗೊಳಿಸಿ ಆದೇಶಿಸಿದೆ. ಇದರನ್ವಯ ಸರ್ಕಾರಿ ಪದವಿ ಪೂರ್ವ ಕಾಲೇಜು ಉಪನ್ಯಾಸಕರ ವರ್ಗಾವಣೆಯನ್ನು ನಡೆಸಿದ್ದಲ್ಲಿ, ಮತ್ತೊಮ್ಮೆ ಕಡ್ಡಾಯ ವರ್ಗಾವಣೆಯನ್ನು ಕೈಗೊಳ್ಳಬೇಕಾಗುತ್ತಿತ್ತು.<br><br>ಮುಂದುವರೆದು, ಕೋವಿಡ್ 19 ಸಾಂಕ್ರಾಮಿಕ ರೋಗದ ಹಿನ್ನೆಲೆಯಲ್ಲಿ, 2020-21ನೇ ಸಾಲಿನಲ್ಲಿ ಭೌತಿಕ ತರಗತಿಗಳನ್ನು ಡಿಸೆಂಬರ್ 2020ರ ವರೆಗೆ ವಿದ್ಯಾರ್ಥಿಗಳ ಹಾಗೂ ಉಪನ್ಯಾಸಕರ ಆರೋಗ್ಯದ ಹಿತದೃಷ್ಟಿಯಿಂದ ನಡೆಸಲು ಸಾಧ್ಯವಾಗಿರುವುದಿಲ್ಲ. ಈ ಕಾರಣಗಳಿಂದ 2020-21ನೇ ಸಾಲಿನ ವರ್ಗಾವಣೆ ಪ್ರಕ್ರಿಯೆಗೆ ಚಾಲನೆ ನೀಡಲು ಸಾಧ್ಯವಾಗಿರುವುದಿಲ್ಲ. |

| | | |
|---|---|---|
| ಇ) | ಶೀಘ್ರವಾಗಿ ಉಪನ್ಯಾಸಕರ ವರ್ಗಾವಣೆಯನ್ನು ನಡೆಸಲು ಸರ್ಕಾರ ಕೈಗೊಂಡ ಕ್ರಮಗಳೇನು? (ವಿವರ ನೀಡುವುದು) | ಸರ್ಕಾರದ ಅಧಿಸೂಚನೆ ಸಂಖ್ಯೆ: ಸಂವ್ಯಶಾಇ 47 ಶಾಸನ 2021, ದಿನಾಂಕ:18-01-2022ರಲ್ಲಿ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳು(ಶಿಕ್ಷಕರ ವರ್ಗಾವಣೆ ನಿಯಂತ್ರಣ)(2ನೇ ತಿದ್ದುಪಡಿ), ವಿಧೇಯಕ 2021ರಲ್ಲಿ ಸಾರ್ವಜನಿಕ ಶಿಕ್ಷಣ ಇಲಾಖೆಯ ಶಿಕ್ಷಕರುಗಳೊಂದಿಗೆ ಸರ್ಕಾರಿ ಪದವಿ ಪೂರ್ವ ಕಾಲೇಜಿನ ಉಪನ್ಯಾಸಕರು ಹಾಗೂ ಪ್ರಾಂಶುಪಾಲರುಗಳನ್ನು ಸೇರ್ಪಡೆಗೊಳಿಸಲಾಗಿರುತ್ತದೆ. ಸದರಿ ವಿಧೇಯಕದನ್ವಯ ನಿಯಮಗಳನ್ನು ರೂಪಿಸಲಾಗುತ್ತಿದ್ದು, ಪ್ರಕ್ರಿಯೆ ಜಾರಿಯಲ್ಲಿರುತ್ತದೆ. ಉಪನ್ಯಾಸಕರ ವರ್ಗಾವಣೆ ನಿಯಮಗಳು ಅಧಿಸೂಚನೆಯಲ್ಲಿ ಪ್ರಕಟವಾದ ನಂತರ ನಿಯಮಾನುಸಾರ ಉಪನ್ಯಾಸಕರ ವರ್ಗಾವಣೆ ಪ್ರಕ್ರಿಯೆಯನ್ನು ಕೈಗೊಳ್ಳಲಾಗುವುದು. |

**ಸಂಖ್ಯೆ: ಇಪಿ 60 ಡಿಜಿಡಬ್ಲ್ಯೂ 2022**

(ಬಿ.ಸಿ. ನಾಗೇಶ್)
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು ಹಾಗೂ ಸಕಾಲ ಸಚಿವರು